ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ವೈದ್ಯಕೀಯ ಶಿಕ್ಷಣ ಸಂಸ್ಥೆಗಳ ಭಾಷಾ ಅಲ್ಪ ಸಂಖ್ಯಾತ ಸ್ಥಾನಮಾನ ಕುರಿತು.

ಶ್ರೀ ಎನ್. ರವಿಕುಮಾರ್(ವಿಧಾನಸಭೆಯಿಂದ ಚುನಾಯಿತರಾದವರು) –

95 (93) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಮತ್ತು ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ವೈದ್ಯಕೀಯ ಶಿಕ್ಷಣ ಸಂಸ್ಥೆಗಳಲ್ಲಿ ಭಾಷಾ ಅಲ್ಪ ಸಂಖ್ಯಾತ/ಧಾರ್ಮಿಕ ಅಲ್ಪಸಂಖ್ಯಾತ ಶಿಕ್ಷಣ ಸಂಸ್ಥೆಗಳ ಕುರಿತು ವ್ಯಾಖ್ಯಾನವೇನು; ಧಾರ್ಮಿಕ ಅಲ್ಪಸಂಖ್ಯಾತ/ಭಾಷಾ ಅಲ್ಪ ಸಂಖ್ಯಾತ ವೈದ್ಯಕೀಯ ಶಿಕ್ಷಣ ಸಂಸ್ಥೆಗಳಿಗೆ ಸರ್ಕಾರ ನೀಡುತ್ತಿರುವ ರಿಯಾಯಿತಿಗಳಾವುವು; ಈ ಶಿಕ್ಷಣ ಸಂಸ್ಥೆಗಳು ಶಿಕ್ಷಣವನ್ನು ವ್ಯಾಪಾರದ ರೀತಿಯಲ್ಲಿ ನಡೆಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಶಿಕ್ಷಣ ಸಂಸ್ಥೆಗಳ ಮೇಲೆ ಸರ್ಕಾರ ಕೈಗೊಂಡ ಕ್ರಮಗಳೇನು;

(ಆ) ಭಾಷಾ ಅಲ್ಪ ಸಂಖ್ಯಾತ/ಧಾರ್ಮಿಕ ಅಲ್ಪಸಂಖ್ಯಾತ ಶಿಕ್ಷಣ ಸಂಸ್ಥೆಗಳಲ್ಲಿ ಆಯಾಯ ಭಾಷೆಯ/ಧರ್ಮದ ವಿದ್ಯಾರ್ಥಿಗಳ ಸಂಖ್ಯೆ ಕನಿಷ್ಠ 50% ಇದ್ದರೆ ಮಾತ್ರ ಅಂತಹ ಶಿಕ್ಷಣ ಸಂಸ್ಥೆಗಳನ್ನು ಭಾಷಾ/ಧಾರ್ಮಿಕ ಅಲ್ಪ ಸಂಖ್ಯಾತ ವೈದ್ಯಕೀಯ ಶಿಕ್ಷಣ ಸಂಸ್ಥೆಗಳು ಎಂದು ಪರಿಗಣಿಸುವ ಬಗ್ಗೆ ಸರ್ಕಾರದ ನಿಲುವೇನು;

(ಇ) ಭಾಷಾ ಅಲ್ಪ ಸಂಖ್ಯಾತ/ಧಾರ್ಮಿಕ ಅಲ್ಪಸಂಖ್ಯಾತ ಶಿಕ್ಷಣ ಸಂಸ್ಥೆಗಳು ಸರ್ಕಾರಕ್ಕೆ ಎಷ್ಟು ವೈದ್ಯಕೀಯ ಸೀಟುಗಳನ್ನು ಬಿಟ್ಟುಕೊಡುತ್ತಿವೆ; (ಕಾಲೇಜುವಾರು ಮಾಹಿತಿ ನೀಡುವುದು)

(ಈ) ಬಡ ಮತ್ತು ಪ್ರತಿಭಾವಂತ ಮಕ್ಕಳು ವೈದ್ಯಕೀಯ ಶಿಕ್ಷಣ ಪಡೆಯಲು ಅನುವಾಗುವಂತೆ ಸರ್ಕಾರಕ್ಕೆ ವೈದ್ಯಕೀಯ ಮತ್ತು ಉನ್ನತ ವೈದ್ಯಕೀಯ ಶಿಕ್ಷಣದ ಸೀಟುಗಳನ್ನು ಬಿಟ್ಟುಕೊಡದಿರುವ ಶಿಕ್ಷಣ ಸಂಸ್ಥೆಗಳ ಮಾನ್ಯತೆಯನ್ನು ರದ್ದುಪಡಿಸುವಲ್ಲಿ ಸರ್ಕಾರ ಕೈಗೊಂಡ ಕ್ರಮಗಳಾವುವು ಹಾಗೂ ಈ ಕುರಿತು ಸರ್ಕಾರದ ನಿಲುವೇನು?